ಇವರನ್ನು ಕರ್ನಾಟಕ ರಾಜ್ಯ ಸಹಕಾರ ಮಹಾಮಂಡಳ ನಿ., ರೇಸ್ ಕೋರ್ಸ್ ರಸ್ತೆ, ಬೆಂಗಳೂರು ಇದರ ಆಡಳಿತ ಮಂಡಳಿಯ ಸದಸ್ಯರನ್ನಾಗಿ ಈ ಕೂಡಲೇ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆವಿಗೂ ನಾಮನಿರ್ದೇಶನ ಮಾಡಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 266

**ಆರ್.ಎಸ್. ಹುಚ್ಚಾಚಾರಿ**

ವಿಶೇಷ ಕರ್ತವ್ಯಾಧಿಕಾರಿ, ಸಹಕಾರ ಇಲಾಖೆ.

**ಅಧಿಸೂಚನೆ**

**ಸಂಖ್ಯೆ: ಸಿಎಂಡಬ್ಲ್ಯೂ 248 ಸಿಎನ್‌ಎಸ್ 2001, ಬೆಂಗಳೂರು, ದಿನಾಂಕ: 25ನೇ ಫೆಬ್ರವರಿ 2004**

ಸರ್ಕಾರದ ಅಧಿಸೂಚನೆ ಸಂಖ್ಯೆ: ಸಿಎಂಡಬ್ಲ್ಯೂ 248 ಸಿಎನ್‌ಎಸ್ 2001, ದಿನಾಂಕ: 28.07.2001 ರ ಅನುಬಂಧದ ಕ್ರಮ ಸಂಖ್ಯೆ 01 ರಲ್ಲಿ ಮಾಗಡಿ ತಾಲ್ಲೂಕಿನ ಹುಳ್ಳೇನಹಳ್ಳಿ ವ್ಯವಸಾಯ ಸೇವಾ ಸಹಕಾರ ಬ್ಯಾಂಕ್ ನಿ., ಹುಳ್ಳೇನಹಳ್ಳಿ, ಇದರ ಆಡಳಿತ ಮಂಡಳಿಗೆ ಮಾಡಿದ್ದ ಶ್ರೀಮತಿ ಶಾರದಮ್ಮ ಕೋಂ ಹನುಮಂತೇಗೌಡ, ಹುಳ್ಳೇನಹಳ್ಳಿ, ತಿಪ್ಪಸಂದ್ರ ಹೋಬಳಿ ಮಾಗಡಿ ತಾಲ್ಲೂಕು ರವರ ನಾಮನಿರ್ದೇಶನವನ್ನು ಈ ಕೂಡಲೇ ಜಾರಿಗೆ ಬರುವಂತೆ ರದ್ದುಪಡಿಸಿದೆ.

ಮುಂದುವರಿದು, ಕರ್ನಾಟಕ ಸಹಕಾರ ಸಂಘಗಳ ಅಧಿನಿಯಮ 1959ರ ಪ್ರಕರಣ 29ರ ಉಪ ಪ್ರಕರಣ (1)ರ ಮೇರೆಗೆ ದತ್ತವಾದ ಅಧಿಕಾರಗಳನ್ನು ಚಲಾಯಿಸಿ ಕರ್ನಾಟಕ ಸರ್ಕಾರವು ಶ್ರೀಮತಿ ಜಯಮ್ಮ ಕೋಂ ತಿಮ್ಮೇಗೌಡ ಇವರನ್ನು ಮಾಗಡಿ ತಾಲ್ಲೂಕಿನ ಹುಳ್ಳೇನಹಳ್ಳಿ ವ್ಯವಸಾಯ ಸೇವಾ ಸಹಕಾರ ಬ್ಯಾಂಕ್ ನಿ., ಹುಳ್ಳೇನಹಳ್ಳಿ ಇದರ ಆಡಳಿತ ಮಂಡಳಿಗೆ ಸದಸ್ಯರನ್ನಾಗಿ ಈ ಕೂಡಲೇ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆವಿಗೂ ನಾಮನಿರ್ದೇಶನ ಮಾಡಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 267

**ಆರ್.ಎಸ್. ಹುಚ್ಚಾಚಾರಿ**

ವಿಶೇಷ ಕರ್ತವ್ಯಾಧಿಕಾರಿ, ಸಹಕಾರ ಇಲಾಖೆ.

**ಒಳಾಡಳಿತ ಮತ್ತು ಸಾರಿಗೆ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಒಸಾಇ 253 ಪಿಎಂಎಸ್ 2003, ಬೆಂಗಳೂರು, ದಿನಾಂಕ: 9ನೇ ಮಾರ್ಚ್ 2004**

1872 ರ ಇಂಡಿಯನ್ ಕ್ರಿಶ್ಚಿಯನ್ ಮ್ಯಾರೇಜ್ ಕಾಯಿದೆಯ 6 ಮತ್ತು 9ನೇ ಕಲಂನಲ್ಲಿ ಪ್ರದತ್ತವಾಗಿರುವ ಅಧಿಕಾರವನ್ನು ಚಲಾಯಿಸಿ ಇಂಡಿಯನ್ ಕ್ರಿಶ್ಚಿಯನ್ ಮ್ಯಾರೇಜ್ (ಕರ್ನಾಟಕ) ನಿಯಮಗಳು 1961 ರಂತೆ ಕಾರ್ಯನಿರ್ವಹಿಸಲು ಪಾಸ್ಟರ್ ಜಿ. ಏಸುರತ್ನಂ, ಶಾರಾನ್ ಬ್ಯಾಪ್ಟಿಸ್ಟ್ ಚರ್ಚ್, ಕಮ್ಮಗೊಂಡನ ಹಳ್ಳಿ, ಜಾಲಹಳ್ಳಿ (ಪಶ್ಚಿಮ), ಬೆಂಗಳೂರು-560 015 ಇವರಿಗೆ ಮೇಲಿನ ಕಾಯಿದೆಯಡಿಯಲ್ಲಿ ಕರ್ನಾಟಕದಲ್ಲಿ ವಿವಾಹ ವಿಧಿಯನ್ನು ನೆರವೇರಿಸಲು ಪರವಾನಿಗೆಯನ್ನು ಈ ಮೂಲಕ ನೀಡಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 269

**ಎ.ಎಸ್. ಕಾಂತರಾಜು**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಮತ್ತು ಸಾರಿಗೆ ಇಲಾಖೆ (ರಹದಾರಿ ಮತ್ತು ವಿದೇಶಿಯರು).

**ಸಹಕಾರ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಸಿಎಂಡಬ್ಲ್ಯೂ 357 ಸಿಎನ್‌ಎಸ್ 2000, ಬೆಂಗಳೂರು, ದಿನಾಂಕ: 25ನೇ ಫೆಬ್ರವರಿ 2004**

ಸರ್ಕಾರದ ಅಧಿಸೂಚನೆ ಸಂಖ್ಯೆ: ಸಿಎಂಡಬ್ಲ್ಯೂ 357 ಸಿಎನ್‌ಎಸ್ 2000, ದಿನಾಂಕ: 5.09.2000 ರಲ್ಲಿ ಹುಕ್ಕೇರಿ ತಾಲ್ಲೂಕಿನ ಕಮತನೂರ ಪ್ರಾಥಮಿಕ ಕೃಷಿ ಸಹಕಾರ ಬ್ಯಾಂಕ್ ನಿ., ಕಮತನೂರ ಇದರ ಆಡಳಿತ ಮಂಡಳಿಗೆ ಮಾಡಿದ್ದ ಶ್ರೀ ಮಹದೇವ ನಿಂಗಪ್ಪಾ ಲಕ್ಕಾರ, ಸಾ: ಕಮತನೂರ, ಹುಕ್ಕೇರಿ ತಾಲ್ಲೂಕು ರವರ ನಾಮನಿರ್ದೇಶನವನ್ನು ಈ ಕೂಡಲೇ ಜಾರಿಗೆ ಬರುವಂತೆ ರದ್ದುಪಡಿಸಿದೆ.

ಮುಂದುವರಿದು, ಕರ್ನಾಟಕ ಸಹಕಾರ ಸಂಘಗಳ ಅಧಿನಿಯಮ 1959ರ ಪ್ರಕರಣ 29ರ ಉಪ ಪ್ರಕರಣ (1)ರ ಮೇರೆಗೆ ದತ್ತವಾದ ಅಧಿಕಾರಗಳನ್ನು ಚಲಾಯಿಸಿ ಕರ್ನಾಟಕ ಸರ್ಕಾರವು ಶ್ರೀ ಅಪ್ಪಾಸಾಹೇಬ ನಿಂಗಪ್ಪ ಕುರಣೆ ಇವರನ್ನು ಹುಕ್ಕೇರಿ ತಾಲ್ಲೂಕಿನ ಕಮತನೂರ ಪ್ರಾಥಮಿಕ ಕೃಷಿ ಸಹಕಾರ ಬ್ಯಾಂಕ್ ನಿ., ಕಮತನೂರ ಇದರ ಆಡಳಿತ ಮಂಡಳಿಗೆ ಸದಸ್ಯರನ್ನಾಗಿ ಈ ಕೂಡಲೇ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆವಿಗೂ ನಾಮನಿರ್ದೇಶನ ಮಾಡಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 271

**ಆರ್.ಎಸ್. ಹುಚ್ಚಾಚಾರಿ**

ವಿಶೇಷ ಕರ್ತವ್ಯಾಧಿಕಾರಿ, ಸಹಕಾರ ಇಲಾಖೆ.

**ಅಧಿಸೂಚನೆ**

**ಸಂಖ್ಯೆ: ಸಿಎಂಡಬ್ಲ್ಯೂ 360 ಸಿಎನ್‌ಎಸ್ 2000, ಬೆಂಗಳೂರು, ದಿನಾಂಕ: 25ನೇ ಫೆಬ್ರವರಿ 2004**

ಸರ್ಕಾರದ ಅಧಿಸೂಚನೆ ಸಂಖ್ಯೆ: ಸಿಎಂಡಬ್ಲ್ಯೂ 360 ಸಿಎನ್‌ಎಸ್ 2000, ದಿನಾಂಕ: 14.09.2000 ಮತ್ತು 27.11.2001 ರಲ್ಲಿ ಕರ್ನಾಟಕ ರಾಜ್ಯ ಸಹಕಾರ ಅಪೆಕ್ಸ್ ಬ್ಯಾಂಕ್ ನಿ., ಚಾಮರಾಜಪೇಟೆ, ಬೆಂಗಳೂರು-18 ಇದರ ಆಡಳಿತ ಮಂಡಳಿಗೆ

ನಾಮನಿರ್ದೇಶನಗೊಂಡಿದ್ದ ಶ್ರೀ ಎಂ.ಎಂ. ಲಕ್ಷ್ಮಣಗೌಡ, ಮಗ್ಗಲಮಕ್ಕಿ, ದಾರದಳ್ಳಿ ಅಂಚೆ, ಮೂಡಿಗೆರೆ ತಾಲ್ಲೂಕು, ಚಿಕ್ಕಮಗಳೂರು ಜಿಲ್ಲೆ ಮತ್ತು ಶ್ರೀ ಅನಂತಯ್ಯ ಬಿನ್ ಪ್ರಹ್ಲಾದಯ್ಯ ನಿರುವಗಲ್ ಅಂಚೆ, ಚಿಕ್ಕನಾಯಕನಹಳ್ಳಿ ತಾಲ್ಲೂಕು, ತುಮಕೂರು ಜಿಲ್ಲೆ ಇವರುಗಳ ನಾಮನಿರ್ದೇಶನವನ್ನು ರದ್ದುಪಡಿಸಿದೆ.

ಮುಂದುವರಿದು, ಕರ್ನಾಟಕ ಸಹಕಾರ ಸಂಘಗಳ ಅಧಿನಿಯಮ 1959ರ ಕಲಂ 29ರ ಉಪ ಕಲಂ (1) ಮತ್ತು ಕಲಂ 53ಎ ಮೇರೆಗೆ ದತ್ತವಾದ ಅಧಿಕಾರಗಳನ್ನು ಚಲಾಯಿಸಿ ಕರ್ನಾಟಕ ಸರ್ಕಾರವು ಈ ಕೆಳಕಂಡವರುಗಳನ್ನು ಕರ್ನಾಟಕ ರಾಜ್ಯ ಸಹಕಾರ ಅಪೆಕ್ಸ್ ಬ್ಯಾಂಕ್ ನಿ., ಚಾಮರಾಜಪೇಟೆ, ಬೆಂಗಳೂರು-18 ಇದರ ಆಡಳಿತ ಮಂಡಳಿಗೆ ಸದಸ್ಯರುಗಳನ್ನಾಗಿ ಈ ಕೂಡಲೇ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆವಿಗೂ ನಾಮನಿರ್ದೇಶನ ಮಾಡಿದೆ.

**ಕಲಂ 29(1) ರಡಿಯಲ್ಲಿ**

ಶ್ರೀ ಸಾಯಿಬಣ್ಣ ತಂದೆ ಹೊನ್ನಪ್ಪ, ವಕೀಲರು, ಯಾದಗಿರಿ ತಾಲ್ಲೂಕು, ಗುಲ್ಬರ್ಗಾ ಜಿಲ್ಲೆ

**ಕಲಂ 53ಎ ರಡಿಯಲ್ಲಿ**

ಶ್ರೀ ದೊಡ್ಡಸ್ವಾಮಿಗೌಡ ಬಿನ್ ಯಳವೇಗೌಡ, ನಂ. 8, ಸುಬ್ಬಣ್ಣಗಾರ್ಡನ್, ಬಿ.ಟಿ.ಎಸ್., 5ನೇ ಡಿಪೋ ಹಿಂಬಾಗ, ವಿಜಯನಗರ, ಬೆಂಗಳೂರು-40.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 272

**ಆರ್.ಎಸ್. ಹುಚ್ಚಾಚಾರಿ**

ವಿಶೇಷ ಕರ್ತವ್ಯಾಧಿಕಾರಿ, ಸಹಕಾರ ಇಲಾಖೆ.

## ಒಳಾಡಳಿತ ಮತ್ತು ಸಾರಿಗೆ ಸಚಿವಾಲಯ

## ಅಧಿಸೂಚನೆ

### ಸಂಖ್ಯೆ: ಸಾರಿಇ 15 ಸಾಸಂನಿ 2004, ಬೆಂಗಳೂರು, ದಿನಾಂಕ: 12ನೇ ಮಾರ್ಚ್ 2004

ಶ್ರೀ ಆರ್.ವಿ. ದೇವರಾಜ್, ಇವರು ಕರ್ನಾಟಕ ರಾಜ್ಯ ರಸ್ತೆ ಸಾರಿಗೆ ಸಂಸ್ಥೆ, ವಾಯುವ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆ, ಈಶಾನ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆ, ಮತ್ತು ಬೆಂಗಳೂರು ಮಹಾನಗರ ಸಾರಿಗೆ ಸಂಸ್ಥೆಗಳಿಗೆ ಅಧ್ಯಕ್ಷರಾಗಿರುತ್ತಾರೆ. ದಿನಾಂಕ: 28.2.2004 ರಂದು ಕರ್ನಾಟಕ ರಾಜ್ಯ ರಸ್ತೆ ಸಾರಿಗೆ ಸಂಸ್ಥೆಯನ್ನು ಹೊರತುಪಡಿಸಿ ಇನ್ನುಳಿದ ವಾಯುವ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆ, ಈಶಾನ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆ, ಬೆಂಗಳೂರು ಮಹಾನಗರ ಸಾರಿಗೆ ಸಂಸ್ಥೆಗಳ ಅಧ್ಯಕ್ಷ ಸ್ಥಾನಕ್ಕೆ ರಾಜೀನಾಮೆ ನೀಡಿರುತ್ತಾರೆ.

ಶ್ರೀ ಆರ್.ವಿ. ದೇವರಾಜ್, ಇವರನ್ನು ರಸ್ತೆ ಸಾರಿಗೆ ನಿಗಮಗಳ ಕಾಯಿದೆ 1950ರ (ಕೇಂದ್ರ 1950ರ 64ನೇ ಕಾಯಿದೆ) ಕಲಂ 7 ಹಾಗೂ ಕರ್ನಾಟಕ ರಾಜ್ಯ ರಸ್ತೆ ಸಾರಿಗೆ ನಿಗಮದ ನಿಯಮಾವಳಿಗಳು 1961ರ ನಿಯಮ 3(2) ರಡಿಯಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಸರ್ಕಾರವು ವಾಯುವ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆ, ಈಶಾನ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆ, ಮತ್ತು ಬೆಂಗಳೂರು ಮಹಾನಗರ ಸಾರಿಗೆ ಸಂಸ್ಥೆಯ ಅಧ್ಯಕ್ಷ ಸ್ಥಾನಕ್ಕೆ ನೀಡಿರುವ ರಾಜೀನಾಮೆಯನ್ನು ಈ ಕೂಡಲೇ ಜಾರಿಗೆ ಬರುವಂತೆ ಅಂಗೀಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 273

**ಸಿ.ಎಂ. ಈಶ್ವರ್**

ಸರ್ಕಾರದ ಉಪ ಕಾರ್ಯದರ್ಶಿ, (ಸಾರಿಗೆ)

ಒಳಾಡಳಿತ ಮತ್ತು ಸಾರಿಗೆ ಇಲಾಖೆ.

## ಕಂದಾಯ ಸಚಿವಾಲಯ

## ಅಧಿಸೂಚನೆ

### ಸಂಖ್ಯೆ: ಕಂಇ 40 ಎಲ್‌ಆರ್‌ಎಂ 2003, ಬೆಂಗಳೂರು, ದಿನಾಂಕ: 19ನೇ ಫೆಬ್ರವರಿ 2004

ಕೃಷಿ ಉತ್ಪನ್ನ ಮಾರುಕಟ್ಟೆ ಸಮಿತಿ, ಯಲಬುರ್ಗಾ, ಇವರು ಕೊಪ್ಪಳ ಜಿಲ್ಲೆಯ ಯಲಬುರ್ಗಾ ತಾಲ್ಲೂಕು, ಮಂಗಳೂರ ಹೋಬಳಿ, ಬೇವೂರು ಗ್ರಾಮದ ಸರ್ವೆ ನಂ. 353 ರಲ್ಲಿ 3.15 ಎಕರೆ ಮತ್ತು 356 ರಲ್ಲಿ 3.14 ಎಕೆರೆ (ಒಟ್ಟು 6.29 ಎಕರೆ) ಕೃಷಿ ಜಮೀನನ್ನು ಉಪ ಮಾರುಕಟ್ಟೆ ಪ್ರಾಂಗಣ ಸ್ಥಾಪಿಸುವ ಉದ್ದೇಶಕ್ಕಾಗಿ ಖರೀದಿಸಲು ಮಾಡಿದ ಬೇಡಿಕೆ ಹಾಗೂ ನಮೂನೆ 15-ಎ ಮತ್ತು 15-ಎಎ ಗಳಲ್ಲಿ ನೀಡಿದ ಮಾಹಿತಿ ಅನುಸರಿಸಿ ಜಿಲ್ಲಾಧಿಕಾರಿಗಳು, ಕೊಪ್ಪಳ ಜಿಲ್ಲೆ ಇವರು ತಮ್ಮ ಪತ್ರ ಸಂಖ್ಯೆ: ಭೂಸು: 42/2002-2003, ದಿನಾಂಕ: 5.2.2003 ಮತ್ತು 4.8.2003 ರಲ್ಲಿ ಪ್ರಸ್ತಾಪಿತ ಗ್ರಾಮದ ಮೇಲ್ಕಂಡ ಸರ್ವೆ ನಂಬರಿನಲ್ಲಿ ಒಟ್ಟು 6.29 ಎಕರೆ ಜಮೀನನ್ನು ಖರೀದಿಸಲು ಸದರಿ ಸಂಸ್ಥೆಗೆ ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109(1ಎ) ರಡಿ ವಿನಾಯ್ತಿ ನೀಡಲು ಶಿಫಾರಸ್ಸು ಮಾಡಿರುತ್ತಾರೆ.

ಪ್ರಸ್ತಾಪಿತ ಜಮೀನಿನ ಖಾತೆದಾರರಿಂದ ಜಮೀನನ್ನು ಖರೀದಿಸಲು ಕರಾರು ಪತ್ರ ಮಾಡಿಕೊಂಡಿರುತ್ತಾರೆ.

ಪ್ರಸ್ತಾಪಿತ ಜಮೀನು ಕರ್ನಾಟಕ ಪರಿಶಿಷ್ಟ ಜಾತಿ : ಪರಿಶಿಷ್ಟ ಪಂಗಡ (ಪಿ.ಟಿ.ಸಿ.ಎಲ್) ಕಾಯ್ದೆ, 1978, ಕರ್ನಾಟಕ ಭೂ ಮಂಜೂರಾತಿ ನಿಯಮಾವಳಿಗಳು ಹಾಗೂ ಇನ್ನಿತರ ಪರಭಾರೆ ನಿಷೇಧ ಕಾಯ್ದೆಗಳ ವ್ಯಾಪ್ತಿಗೆ ಒಳಪಡುವುದಿಲ್ಲ.

ಕರ್ನಾಟಕ ಭೂ ಸುಧಾರಣೆ ಕಾಯದೆ, 1961ರ ಕಲಂ 109 (1-ಎ) ರಲ್ಲಿ ಸಾರ್ವಜನಿಕ ಉದ್ದೇಶಕ್ಕಾಗಿ ಹಾಗೂ ಕಾರಣಗಳನ್ನು ದಾಖಲಿಸುವ ಷರತ್ತಿಗೊಳಪಟ್ಟು ನಿರ್ದಿಷ್ಟ ಉದ್ದೇಶಕ್ಕಾಗಿ ಎಷ್ಟೆ ವಿಸ್ತೀರ್ಣದ ಜಮೀನು ಖರೀದಿಸಲು ವಿನಾಯ್ತಿ ನೀಡಲು ಅವಕಾಶ ಕಲ್ಪಿಸಿದೆ. ಈ ಪ್ರಸ್ತಾವನೆ ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ಕಾಯ್ದೆ, 1995ರ ಕಲಂ 109 (1-ಎ) ಮತ್ತು ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ನಿಯಮ 1996ರ ನಿಯಮ 38-ಬಿ ಮತ್ತು 38-ಸಿ ರಲ್ಲಿನ ಷರತ್ತುಗಳನ್ನು ಪೂರೈಸಿದ್ದು, ಕರ್ನಾಟಕ ಭೂ ಸುಧಾರಣೆ ಕಾಯ್ದೆ,

1961ರ ಕಲಂ 63, 79-ಎ, 79-ಬಿ ಅಥವಾ 80ಕ್ಕೆ ವಿನಾಯ್ತಿ ನೀಡಿ ಯಲಬುರ್ಗಾ ತಾಲ್ಲೂಕು, ಮಂಗಳೂರ ಹೋಬಳಿ, ಬೇವೂರು ಗ್ರಾಮದ ಸರ್ವೆ ನಂ. 353 ರಲ್ಲಿ 3.15 ಎಕರೆ ಮತ್ತು 356 ರಲ್ಲಿ 3.14 ಎಕರೆ (ಒಟ್ಟು 6.29 ಎಕರೆ) ಜಮೀನನ್ನು ಕೃಷಿ ಉತ್ಪನ್ನ ಮಾರುಕಟ್ಟೆ ಸಮಿತಿ, ಯಲಬುರ್ಗಾ ಇವರಿಗೆ ಉಪ ಮಾರುಕಟ್ಟೆ ಪ್ರಾಂಗಣ ಸ್ಥಾಪಿಸುವ ಉದ್ದೇಶಕ್ಕಾಗಿ ಖರೀದಿಸಲು ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109 (1-ಎ) ರಡಿ, ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟಂತೆ ಸರ್ಕಾರದ ಅನುಮತಿ ನೀಡಲಾಗಿದೆ.

1. ಯಾವ ಉದ್ದೇಶಕ್ಕಾಗಿ ಜಮೀನನ್ನು ಖರೀದಿಸಲು ಅನುಮತಿ ನೀಡಲಾಗಿದೆಯೋ ಅದೇ ಉದ್ದೇಶಕ್ಕಾಗಿ ಸದರಿ ಜಮೀನನ್ನು ಎರಡು ವರ್ಷಗಳೊಳಗಾಗಿ ಉಪಯೋಗಿಸತಕ್ಕದ್ದು ಮತ್ತು ಆ ಬಗ್ಗೆ ಜಿಲ್ಲಾಧಿಕಾರಿಗಳ ಮುಖಾಂತರ ಸರ್ಕಾರಕ್ಕೆ ಲಿಖಿತವಾಗಿ ಮಾಹಿತಿ ನೀಡತಕ್ಕದ್ದು;
2. ವಿನಾಯ್ತಿ ಪಡೆದವರು ಸರ್ಕಾರ ಅಥವಾ ಯಾವುದೇ ಷೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ 1956 ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 55 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ;
3. ಈ ಜಮೀನನ್ನು ವ್ಯವಸಾಯದಿಂದ ವ್ಯವಸಾಯೇತರ ಉದ್ದೇಶಕ್ಕಾಗಿ ಪರಿವರ್ತಿಸಿಕೊಳ್ಳಲು ಕರ್ನಾಟಕ ಭೂ ಕಂದಾಯ ಕಾಯ್ದೆ, 1964 ರ ಕಲಂ 95 ರಂತೆ ಜಿಲ್ಲಾಧಿಕಾರಿಗಳಿಂದ ಅನುಮತಿ ಪಡೆಯಬೇಕು;
4. ಈ ಜಮೀನು ನಗರಾಭಿವೃದ್ಧಿ ಪ್ರಾಧಿಕಾರ ಸಿ.ಡಿ.ಪಿ./ಒ.ಡಿ.ಪಿ. ವ್ಯಾಪ್ತಿಯೊಳಗೆ ಬಂದರೆ, ಅದರಂತೆ ಅನುಮತಿ ಪಡೆದು ಉಪಯೋಗಿಸತಕ್ಕದ್ದು;
5. ಮೇಲಿನ ಷರತ್ತುಗಳು ಉಲ್ಲಂಘನೆಯಾದಲ್ಲಿ ಈಗ ನೀಡಲಾಗಿರುವ ಅನುಮತಿಯನ್ನು ಕಾನೂನು ರೀತ್ಯಾ ರದ್ದುಪಡಿಸಲಾಗುವುದು ಮತ್ತು ಪ್ರಸ್ತಾವಿತ ಭೂಮಿಯನ್ನು ಋಣಮುಕ್ತವಾಗಿ ಸರ್ಕಾರದಲ್ಲಿ ನಿಹಿತ ಮಾಡಿಕೊಳ್ಳಲಾಗುವುದು;
6. ಈ ಅನುಮತಿಯು ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109 ರನ್ವಯ ಮಾತ್ರವಾಗಿರುತ್ತದೆ. ಬೇರೆ ಕಾನೂನುಗಳ ಉಲ್ಲಂಘನೆಯಾದಲ್ಲಿ ಸಂಬಂಧಿಸಿದ ಕಾಯ್ದೆಯಡಿ ಅಗತ್ಯ ಕ್ರಮ ಜರುಗಿಸಲು ಅವಕಾಶವಿರುತ್ತೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 274

**ಎಂ.ಕೆ. ಮದೀಹಳ್ಳಿ**
ಸರ್ಕಾರದ ಉಪ ಕಾರ್ಯದರ್ಶಿ,
ಕಂದಾಯ ಇಲಾಖೆ (ಭೂ ಸುಧಾರಣೆ).

## ಅಧಿಸೂಚನೆ

### ಸಂಖ್ಯೆ: ಕಂಇ 61 ಎಲ್‌ಆರ್‌ಎಂ 2003, ಬೆಂಗಳೂರು, ದಿನಾಂಕ: 17ನೇ ಫೆಬ್ರವರಿ 2004

ಭೈರಾಪುರ ಹಾಲು ಉತ್ಪಾದಕರ ಸಹಕಾರ ಸಂಘ ನಿಯಮಿತ, ಭೈರಾಪುರ, ಇವರು ಬೆಂಗಳೂರು ಜಿಲ್ಲೆ, ಬೆಂಗಳೂರು ಉತ್ತರ ತಾಲ್ಲೂಕು, ಹೆಸರಘಟ್ಟ ಹೋಬಳಿ, ಭೈರಾಪುರ ಗ್ರಾಮದ ಸ.ನಂ. 24/3 ರಲ್ಲಿ 0.08 ಗುಂಟೆ ಜಮೀನನ್ನು ಭೈರಾಪುರ ಹಾಲು ಉತ್ಪಾದಕರ ಸಹಕಾರ ಸಂಘದ ಭವನ ನಿರ್ಮಾಣದ ಉದ್ದೇಶಕ್ಕಾಗಿ ಖರೀದಿಸಲು ಮಾಡಿದ ಬೇಡಿಕೆ ಹಾಗೂ ನಮೂನೆ 15-ಎ ಮತ್ತು 15-ಎಎ ಗಳಲ್ಲಿ ನೀಡಿದ ಮಾಹಿತಿ ಅನುಸರಿಸಿ ವಿಶೇಷ ಜಿಲ್ಲಾಧಿಕಾರಿಗಳು (ಕಂದಾಯ), ಬೆಂಗಳೂರು ಜಿಲ್ಲೆ ಇವರು ತಮ್ಮ ಪತ್ರ ಸಂಖ್ಯೆ: ಎಲ್‌ಆರ್‌ಎಫ್/ಸಿಆರ್/119/2001-2002, ದಿನಾಂಕ: 21.4.2003 ರಲ್ಲಿ ಪ್ರಸ್ತಾಪಿತ ಗ್ರಾಮದ ಮೇಲ್ಕಂಡ ಸರ್ವೆ ನಂಬರಿನಲ್ಲಿ ಒಟ್ಟು 0.08 ಗುಂಟೆ ಜಮೀನನ್ನು ಖರೀದಿಸಲು ಸದರಿ ಸಂಸ್ಥೆಗೆ ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961 ರ ಕಲಂ 109 (1-ಎ) ರಡಿ ವಿನಾಯ್ತಿ ನೀಡಲು ಶಿಫಾರಸ್ಸು ಮಾಡಿರುತ್ತಾರೆ.

ಪ್ರಸ್ತಾಪಿತ ಜಮೀನಿನ ಖಾತೆದಾರರಿಂದ ಜಮೀನನ್ನು ಖರೀದಿಸಲು ಕರಾರು ಪತ್ರ ಮಾಡಿಕೊಂಡಿರುತ್ತಾರೆ.

ಪ್ರಸ್ತಾಪಿತ ಜಮೀನು ಕರ್ನಾಟಕ ಪರಿಶಿಷ್ಟ ಜಾತಿ : ಪರಿಶಿಷ್ಟ ಪಂಗಡ (ಪಿ.ಟಿ.ಸಿ.ಎಲ್) ಕಾಯ್ದೆ, 1978, ಕರ್ನಾಟಕ ಭೂ ಮಂಜೂರಾತಿ ನಿಯಮಾವಳಿಗಳು ಹಾಗೂ ಇನ್ನಿತರ ಪರಭಾರೆ ನಿಷೇಧ ಕಾಯ್ದೆಗಳ ವ್ಯಾಪ್ತಿಗೆ ಒಳಪಡುವುದಿಲ್ಲ.

ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109 (1-ಎ) ರಲ್ಲಿ ಸಾರ್ವಜನಿಕ ಉದ್ದೇಶಕ್ಕಾಗಿ ಹಾಗೂ ಕಾರಣಗಳನ್ನು ದಾಖಲಿಸುವ ಷರತ್ತಿಗೊಳಪಟ್ಟು ನಿರ್ದಿಷ್ಟ ಉದ್ದೇಶಕ್ಕಾಗಿ ಎಷ್ಟೇ ವಿಸ್ತೀರ್ಣದ ಜಮೀನು ಖರೀದಿಸಲು ವಿನಾಯ್ತಿ ನೀಡಲು ಅವಕಾಶ ಕಲ್ಪಿಸಿದೆ. ಈ ಪ್ರಸ್ತಾವನೆ ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ಕಾಯ್ದೆ, 1995ರ ಕಲಂ 109 (1-ಎ) ಮತ್ತು ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ನಿಯಮ 1996ರ ನಿಯಮ 38-ಬಿ ಮತ್ತು 38-ಸಿ ರಲ್ಲಿನ ಷರತ್ತುಗಳನ್ನು ಪೂರೈಸಿದ್ದು, ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 63, 79-ಎ, 79-ಬಿ ಅಥವಾ 80ಕ್ಕೆ ವಿನಾಯ್ತಿ ನೀಡಿ ಬೆಂಗಳೂರು ಉತ್ತರ ತಾಲ್ಲೂಕು, ಹೆಸರಘಟ್ಟ ಹೋಬಳಿ, ಭೈರಾಪುರ ಗ್ರಾಮದ ಸ.ನಂ. 24/3 ರಲ್ಲಿ 0.08 ಗುಂಟೆ ಜಮೀನನ್ನು ಭೈರಾಪುರ ಹಾಲು ಉತ್ಪಾದಕರ ಸಹಕಾರ ಸಂಘದ ಭವನ ನಿರ್ಮಾಣದ ಉದ್ದೇಶಕ್ಕಾಗಿ ಖರೀದಿಸಲು ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109 (1-ಎ) ರಡಿ, ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟಂತೆ ಸರ್ಕಾರದ ಅನುಮತಿ ನೀಡಲಾಗಿದೆ.

1. ಯಾವ ಉದ್ದೇಶಕ್ಕಾಗಿ ಜಮೀನನ್ನು ಖರೀದಿಸಲು ಅನುಮತಿ ನೀಡಲಾಗಿದೆಯೋ ಅದೇ ಉದ್ದೇಶಕ್ಕಾಗಿ ಸದರಿ ಜಮೀನನ್ನು ಎರಡು ವರ್ಷಗಳೊಳಗಾಗಿ ಉಪಯೋಗಿಸತಕ್ಕದ್ದು ಮತ್ತು ಆ ಬಗ್ಗೆ ಜಿಲ್ಲಾಧಿಕಾರಿಗಳ ಮುಖಾಂತರ ಸರ್ಕಾರಕ್ಕೆ ಲಿಖಿತವಾಗಿ ಮಾಹಿತಿ ನೀಡತಕ್ಕದ್ದು;

2. ವಿನಾಯ್ತಿ ಪಡೆದವರು ಸರ್ಕಾರ ಅಥವಾ ಯಾವುದೇ ಶೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ 1956 ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 55 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ;
3. ಈ ಜಮೀನನ್ನು ವ್ಯವಸಾಯದಿಂದ ವ್ಯವಸಾಯೇತರ ಉದ್ದೇಶಕ್ಕಾಗಿ ಪರಿವರ್ತಿಸಿಕೊಳ್ಳಲು ಕರ್ನಾಟಕ ಭೂ ಕಂದಾಯ ಕಾಯ್ದೆ, 1964 ರ ಕಲಂ 95 ರಂತೆ ಜಿಲ್ಲಾಧಿಕಾರಿಗಳಿಂದ ಅನುಮತಿ ಪಡೆಯಬೇಕು;
4. ಈ ಜಮೀನು ನಗರಾಭಿವೃದ್ಧಿ ಪ್ರಾಧಿಕಾರ ಸಿ.ಡಿ.ಪಿ./ಒ.ಡಿ.ಪಿ. ವ್ಯಾಪ್ತಿಯೊಳಗೆ ಬಂದರೆ, ಅದರಂತೆ ಅನುಮತಿ ಪಡೆದು ಉಪಯೋಗಿಸತಕ್ಕದ್ದು;
5. ಮೇಲಿನ ಷರತ್ತುಗಳು ಉಲ್ಲಂಘನೆಯಾದಲ್ಲಿ ಈಗ ನೀಡಲಾಗಿರುವ ಅನುಮತಿಯನ್ನು ಕಾನೂನು ರೀತ್ಯಾ ರದ್ದುಪಡಿಸಲಾಗುವುದು ಮತ್ತು ಪ್ರಸ್ತಾವಿತ ಭೂಮಿಯನ್ನು ಋಣಮುಕ್ತವಾಗಿ ಸರ್ಕಾರದಲ್ಲಿ ನಿಹಿತ ಮಾಡಿಕೊಳ್ಳಲಾಗುವುದು;
6. ಈ ಅನುಮತಿಯು ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109 ರನ್ವಯ ಮಾತ್ರವಾಗಿರುತ್ತದೆ. ಬೇರೆ ಕಾನೂನುಗಳ ಉಲ್ಲಂಘನೆಯಾದಲ್ಲಿ ಸಂಬಂಧಿಸಿದ ಕಾಯ್ದೆಯಡಿ ಅಗತ್ಯ ಕ್ರಮ ಜರುಗಿಸಲು ಅವಕಾಶವಿರುತ್ತೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 275

**ಎಂ.ಕೆ. ಮದೀಹಳ್ಳಿ**

ಸರ್ಕಾರದ ಉಪ ಕಾರ್ಯದರ್ಶಿ,

ಕಂದಾಯ ಇಲಾಖೆ (ಭೂ ಸುಧಾರಣೆ).

## ಅಧಿಸೂಚನೆ

**ಸಂಖ್ಯೆ: ಕಂಇ 98 ಎಲ್‌ಆರ್‌ಎಂ 2003, ಬೆಂಗಳೂರು, ದಿನಾಂಕ: 19ನೇ ಫೆಬ್ರವರಿ 2004**

ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ, ಮುಂಡರಗಿ ಇವರು ಗದಗ ಜಿಲ್ಲೆಯ ಮುಂಡರಗಿ ತಾಲ್ಲೂಕು, ಮುಂಡರಗಿ ಹೋಬಳಿ, ಬ್ಯಾಲವಾಡಗಿ ಗ್ರಾಮದ ಸರ್ವೆ ನಂ. 68/1, 2 ಮತ್ತು 3 ರಲ್ಲಿ 10 ಗುಂಟೆ ಕೃಷಿ ಜಮೀನನ್ನು ಸರ್ಕಾರಿ ನೌಕರರ ಸಮುದಾಯ ಭವನ ಸ್ಥಾಪಿಸುವ ಉದ್ದೇಶಕ್ಕಾಗಿ ದಾನವಾಗಿ ಪಡೆಯಲು ಮಾಡಿದ ಬೇಡಿಕೆ ಹಾಗೂ ನಮೂನೆ 15-ಎ ಮತ್ತು 15-ಎಎ ಗಳಲ್ಲಿ ನೀಡಿದ ಮಾಹಿತಿ ಅನುಸರಿಸಿ ಜಿಲ್ಲಾಧಿಕಾರಿಗಳು, ಗದಗ ಜಿಲ್ಲೆ ಇವರು ತಮ್ಮ ಪತ್ರ ಸಂಖ್ಯೆ: ಕೆಎಲ್‌ಆರ್/109/ಸಿಆರ್/14/2001-2002, ದಿನಾಂಕ: 6.5.2003 ಮತ್ತು 4.9.2003 ರಲ್ಲಿ ಪ್ರಸ್ತಾಪಿತ ಗ್ರಾಮದ ಮೇಲ್ಕಂಡ ಸರ್ವೆ ನಂಬರಿನಲ್ಲಿ ಒಟ್ಟು 10 ಗುಂಟೆ ಜಮೀನನ್ನು ದಾನವಾಗಿ ಪಡೆಯಲು ಸದರಿ ಸಂಸ್ಥೆಗೆ ಕರ್ನಾಟಕ ಭೂ ಸುಧಾರಣೆ ಕಾಯ್ದೆ 1961ರ ಕಲಂ 109 (1-ಎ) ರಡಿ ವಿನಾಯ್ತಿ ನೀಡಲು ಶಿಫಾರಸ್ಸು ಮಾಡಿರುತ್ತಾರೆ.

ಪ್ರಸ್ತಾಪಿತ ಜಮೀನಿನ ಖಾತೆದಾರರಿಂದ ಜಮೀನನ್ನು ದಾನವಾಗಿ ಪಡೆಯಲು ಕರಾರು ಪತ್ರ ಮಾಡಿಕೊಂಡಿರುತ್ತಾರೆ.

ಪ್ರಸ್ತಾಪಿತ ಜಮೀನು ಕರ್ನಾಟಕ ಪರಿಶಿಷ್ಟ ಜಾತಿ : ಪರಿಶಿಷ್ಟ ಪಂಗಡ (ಪಿ.ಟಿ.ಸಿ.ಎಲ್) ಕಾಯ್ದೆ, 1978, ಕರ್ನಾಟಕ ಭೂ ಮಂಜೂರಾತಿ ನಿಯಮಾವಳಿಗಳು ಹಾಗೂ ಇನ್ನಿತರ ಪರಭಾರೆ ನಿಷೇಧ ಕಾಯ್ದೆಗಳ ವ್ಯಾಪ್ತಿಗೆ ಒಳಪಡುವುದಿಲ್ಲ.

ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109 (1-ಎ) ರಲ್ಲಿ ಸಾರ್ವಜನಿಕ ಉದ್ದೇಶಕ್ಕಾಗಿ ಹಾಗೂ ಕಾರಣಗಳನ್ನು ದಾಖಲಿಸುವ ಷರತ್ತಿಗೊಳಪಟ್ಟು ನಿರ್ದಿಷ್ಟ ಉದ್ದೇಶಕ್ಕಾಗಿ ಎಷ್ಟೇ ವಿಸ್ತೀರ್ಣದ ಜಮೀನು ಖರೀದಿಸಲು ವಿನಾಯ್ತಿ ನೀಡಲು ಅವಕಾಶ ಕಲ್ಪಿಸಿದೆ. ಈ ಪ್ರಸ್ತಾವನೆ ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ಕಾಯ್ದೆ, 1995ರ ಕಲಂ 109 (1-ಎ) ಮತ್ತು ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ನಿಯಮ 1996ರ ನಿಯಮ 38-ಬಿ ಮತ್ತು 38-ಸಿ ರಲ್ಲಿನ ಷರತ್ತುಗಳನ್ನು ಪೂರೈಸಿದ್ದು, ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 63, 79-ಎ, 79-ಬಿ ಅಥವಾ 80ಕ್ಕೆ ವಿನಾಯ್ತಿ ನೀಡಿ ಮುಂಡರಗಿ ತಾಲ್ಲೂಕು, ಮುಂಡರಗಿ ಹೋಬಳಿ, ಬ್ಯಾಲವಾಡಗಿ ಗ್ರಾಮದ ಸರ್ವೆ ನಂ. 68/1, 2 ಮತ್ತು 3 ರಲ್ಲಿ 10 ಗುಂಟೆ ಕೃಷಿ ಜಮೀನನ್ನು ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ, ಮುಂಡರಗಿ ಇವರಿಗೆ ಸರ್ಕಾರಿ ನೌಕರರ ಸಮುದಾಯ ಭವನ ಸ್ಥಾಪಿಸುವ ಉದ್ದೇಶಕ್ಕಾಗಿ ದಾನವಾಗಿ ಪಡೆಯಲು ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109 (1-ಎ) ರಡಿ, ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟಂತೆ ಸರ್ಕಾರದ ಅನುಮತಿ ನೀಡಲಾಗಿದೆ.

7. ಯಾವ ಉದ್ದೇಶಕ್ಕಾಗಿ ಜಮೀನನ್ನು ಖರೀದಿಸಲು ಅನುಮತಿ ನೀಡಲಾಗಿದೆಯೋ ಅದೇ ಉದ್ದೇಶಕ್ಕಾಗಿ ಸದರಿ ಜಮೀನನ್ನು ಎರಡು ವರ್ಷಗಳೊಳಗಾಗಿ ಉಪಯೋಗಿಸತಕ್ಕದ್ದು ಮತ್ತು ಆ ಬಗ್ಗೆ ಜಿಲ್ಲಾಧಿಕಾರಿಗಳ ಮುಖಾಂತರ ಸರ್ಕಾರಕ್ಕೆ ಲಿಖಿತವಾಗಿ ಮಾಹಿತಿ ನೀಡತಕ್ಕದ್ದು;
8. ವಿನಾಯ್ತಿ ಪಡೆದವರು ಸರ್ಕಾರ ಅಥವಾ ಯಾವುದೇ ಶೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ 1956 ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 55 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ;
9. ಈ ಜಮೀನನ್ನು ವ್ಯವಸಾಯದಿಂದ ವ್ಯವಸಾಯೇತರ ಉದ್ದೇಶಕ್ಕಾಗಿ ಪರಿವರ್ತಿಸಿಕೊಳ್ಳಲು ಕರ್ನಾಟಕ ಭೂ ಕಂದಾಯ ಕಾಯ್ದೆ, 1964 ರ ಕಲಂ 95 ರಂತೆ ಜಿಲ್ಲಾಧಿಕಾರಿಗಳಿಂದ ಅನುಮತಿ ಪಡೆಯಬೇಕು;

10. ಈ ಜಮೀನು ನಗರಾಭಿವೃದ್ಧಿ ಪ್ರಾಧಿಕಾರ ಸಿ.ಡಿ.ಪಿ./ಒ.ಡಿ.ಪಿ. ವ್ಯಾಪ್ತಿಯೊಳಗೆ ಬಂದರೆ, ಅದರಂತೆ ಅನುಮತಿ ಪಡೆದು ಉಪಯೋಗಿಸತಕ್ಕದ್ದು;
11. ಮೇಲಿನ ಷರತ್ತುಗಳು ಉಲ್ಲಂಘನೆಯಾದಲ್ಲಿ ಈಗ ನೀಡಲಾಗಿರುವ ಅನುಮತಿಯನ್ನು ಕಾನೂನು ರೀತ್ಯಾ ರದ್ದುಪಡಿಸಲಾಗುವುದು ಮತ್ತು ಪ್ರಸ್ತಾವಿತ ಭೂಮಿಯನ್ನು ಋಣಮುಕ್ತವಾಗಿ ಸರ್ಕಾರದಲ್ಲಿ ನಿಹಿತ ಮಾಡಿಕೊಳ್ಳಲಾಗುವುದು;
12. ಈ ಅನುಮತಿಯು ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961ರ ಕಲಂ 109 ರನ್ವಯ ಮಾತ್ರವಾಗಿರುತ್ತದೆ. ಬೇರೆ ಕಾನೂನುಗಳ ಉಲ್ಲಂಘನೆಯಾದಲ್ಲಿ ಸಂಬಂಧಿಸಿದ ಕಾಯ್ದೆಯಡಿ ಅಗತ್ಯ ಕ್ರಮ ಜರುಗಿಸಲು ಅವಕಾಶವಿರುತ್ತೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 276

**ಎಂ.ಕೆ. ಮದೀಹಳ್ಳಿ**

ಸರ್ಕಾರದ ಉಪ ಕಾರ್ಯದರ್ಶಿ,

ಕಂದಾಯ ಇಲಾಖೆ (ಭೂ ಸುಧಾರಣೆ).

## ಸಹಕಾರ ಸಚಿವಾಲಯ

## ಅಧಿಸೂಚನೆ

### ಸಂಖ್ಯೆ: ಸಿಎಂಡಬ್ಲ್ಯೂ 34 ಸಿಎನ್ಎಸ್ 2004, ಬೆಂಗಳೂರು, ದಿನಾಂಕ: 28ನೇ ಫೆಬ್ರವರಿ 2004

ಈ ಹಿಂದೆ ಸರ್ಕಾರದಿಂದ ಮಾಡಿರುವ ಎಲ್ಲಾ ನಾಮ ನಿರ್ದೇಶನಗಳನ್ನು ರದ್ದುಪಡಿಸಿ, ಕರ್ನಾಟಕ ಸಹಕಾರ ಸಂಘಗಳ ಅಧಿನಿಯಮ 1959 (1959ರ ಕರ್ನಾಟಕ ಅಧಿನಿಯಮ ಸಂಖ್ಯೆ 11)ರ ಕಲಂ 29ರ ಉಪ ಕಲಂ(1)ರ ಮೇರೆಗೆ ದತ್ತವಾದ ಅಧಿಕಾರಗಳನ್ನು ಚಲಾಯಿಸಿ, ಕರ್ನಾಟಕ ಸರ್ಕಾರವು ಈ ಕೆಳಕಂಡ ವ್ಯಕ್ತಿಗಳನ್ನು ಕೋಲಾರ ಜಿಲ್ಲೆ, ಚಿಂತಾಮಣಿ ತಾಲ್ಲೂಕಿನ ವ್ಯವಸಾಯ ಉತ್ಪನ್ನ ಮಾರಾಟ ಸಹಕಾರ ಸಂಘ ನಿ, ಚಿಂತಾಮಣಿ ಇದರ ಆಡಳಿತ ಮಂಡಳಿಗೆ ಸದಸ್ಯರುಗಳನ್ನಾಗಿ ಈ ಕೂಡಲೇ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆವಿಗೂ ನಾಮನಿರ್ದೇಶನ ಮಾಡಿದೆ.

1. ಶ್ರೀಮತಿ ಡಿ.ಆರ್. ನಾಗಮಣಿ ಕೋಂ ಸುಬ್ಬಾರೆಡ್ಡಿ ಕೆ.ಇ. ಚಿಕ್ಕಕರಕಮಾಕಲಹಳ್ಳಿ, ಮುರುಗಮಲ್ಲಾ ಹೋಬಳಿ
2. ಶ್ರೀ ಹೆಚ್. ಶಿವಣ್ಣ ಬಿನ್ ಹೊನ್ನೂರಪ್ಪ ರಂಗೇನಹಳ್ಳಿ, ಪಾಪತಿಮ್ಮೇನಹಳ್ಳಿ ಅಂಚೆ, ಚಿಂತಾಮಣಿ ತಾಲ್ಲೂಕು
3. ಮುನಪ್ಪ ಯರ್ರಕೋಟೆ, ಮುರುಗಮಲ್ಲಾ ಅಂಚೆ, ಚಿಂತಾಮಣಿ ತಾಲ್ಲೂಕು

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 277

**ಆರ್.ಎಸ್. ಹುಚ್ಚಾಚಾರಿ**

ವಿಶೇಷ ಕರ್ತವ್ಯಾಧಿಕಾರಿ, ಸಹಕಾರ ಇಲಾಖೆ.

## WATER RESOURCES SECRETARIAT

## NOTIFICATION

### No. WRD 477 SESAKI.2002, Bangalore, dated 24th February 2004

The draft of the following rules to amend the Karnataka Civil Services (Absorption of Assistant Engineers and Junior Engineers appointed on contract basis and on adhoc basis in the Water resources services) (Special) Rules, 2002 which the Government of Karnataka proposes to make in exercise of the powers conferred by sub-section (1) of section 3 read with section 8 of the Karnataka State Civil Services Act, 1978 (Karnataka Act 14 of 1990) is hereby published as required by clause (a) of sub-section (2) of section 3 of the said Act for the information of persons likely to be affected thereby and notice is hereby given that the said draft will be taken into consideration after fifteen days from the date of its publication in the Official Gazette.

Any objection or suggestion which may be received by the State Government from any person with respect to the said draft before the expiry of the said period specified above will be considered by the State Government. The objections and suggestions may be addressed to the Secretary to Government, Water Resources Department, Multi Storeyed Building, Karnataka Government Secretariat, Bangalore-560 001.

## RULES

**1. Title and Commencement.-** These rules may be called the Karnataka Civil Services (Absorption of Assistant Engineers and junior Engineers appointed on contract basis and on adhoc basis in the water resources) (Special) (Amendment) Rules, 2004.

(2) These rules shall come into force from the date of their publication in the Official Gazette.

**2. Amendment of Schedule:-** In the Schedule to the Karnataka State Civil Services (Absorption of Assistant Engineers and Junior Engineers appointed on contract basis and on adhoc basis in the water resources Services) (Special) Rules, 2002 after serial number 92 and the entries relating thereto, the following shall be inserted, namely:-

| | | | | | |
|---|---|---|---|---|---|
| 92A | D.A. Biradar | 1.7.1960 | 31.1.1994 | Asst. Engineer | Rs. 6000-11200 |

By Order and in the name of the Governor of Karnataka,

PR-278

**C.M. Hugar**

Under Secretary to Government,

Water Resources Department (Services-B)

**ಜಲ ಸಂಪನ್ಮೂಲ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಜಸಂಇ 20 ಎನ್‌ಪಿಸಿ 2004, ಬೆಂಗಳೂರು, ದಿನಾಂಕ: 9ನೇ ಮಾರ್ಚ್ 2004**

ಶ್ರೀ ಅದೀಪ್ ಚೌದರಿ, ಅಪರ ಮುಖ್ಯ ಕಾರ್ಯದರ್ಶಿಗಳು ಕರ್ನಾಟಕ ಸರ್ಕಾರ ರವರನ್ನು ಕಾವೇರಿ ನೀರಾವರಿ ನಿಗಮ ನಿಯಮಿತ ಮಂಡಳಿಯ ನಿರ್ದೇಶಕರನ್ನಾಗಿ ಹಾಗೂ ಶ್ರೀ ಬಿ.ಎಸ್. ಪಾಟೀಲ್, ಮುಖ್ಯ ಕಾರ್ಯದರ್ಶಿಗಳು (ನಿವೃತ್ತ) ಮಂಡಳಿಯ ನಿರ್ದೇಶಕರವರ ಸ್ಥಾನದಲ್ಲಿ ಶ್ರೀ ಕೆ.ಕೆ. ಮಿಶ್ರ, ಮುಖ್ಯ ಕಾರ್ಯದರ್ಶಿರವರನ್ನು ಕಾವೇರಿ ನೀರಾವರಿ ನಿಗಮ ನಿಯಮಿತ ಮಂಡಳಿಯ ನಿರ್ದೇಶಕರನ್ನಾಗಿ ಮುಂದುವರಿಸಿ ಕೂಡಲೇ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ನಾಮ ನಿರ್ದೇಶನ ಮಾಡಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 279

**ಎ.ಎಲ್. ಜಗದೀಶ್**

ವಿಶೇಷ ಕರ್ತವ್ಯಾಧಿಕಾರಿ,

ಜಲಸಂಪನ್ಮೂಲ ಇಲಾಖೆ (ತಾಂತ್ರಿಕ, ಎಂಎಂಐ-3).

**ಅರಣ್ಯ, ಪರಿಸರ ಮತ್ತು ಜೀವಿಶಾಸ್ತ್ರ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಅಪಜೀ 25 ಇಎನ್‌ವಿ 2004, ಬೆಂಗಳೂರು, ದಿನಾಂಕ: 15ನೇ ಮಾರ್ಚ್ 2004**

ಸರ್ಕಾರದ ಅಧಿಸೂಚನೆ ಸಂಖ್ಯೆ: ಕೃತೋಇ 27 ತೋಸೇಪ 2004, ದಿನಾಂಕ: 5.3.2004 ರಲ್ಲಿ ಡಾ: ಹೆಚ್. ನಾಗರಾಜ್, ತೋಟಗಾರಿಕೆ ಜಂಟಿ ನಿರ್ದೇಶಕರು, ತೋಟಗಾರಿಕೆ ಇಲಾಖೆ, ಬೆಂಗಳೂರು ಇವರನ್ನು ಕರ್ನಾಟಕ ಜೀವಿ ವೈವಿಧ್ಯ ಮಂಡಳಿ (Karnataka Bio-Diversity Board) ಬೆಂಗಳೂರು ಇಲ್ಲಿ ಹೊಸದಾಗಿ ಸೃಜಿಸಿರುವ ಎಕ್ಸಿಕ್ಯೂಟಿವ್ ಆಫೀಸರ್ (ತೋಟಗಾರಿಕೆ) ಹುದ್ದೆಗೆ ನೇಮಕ ಮಾಡಲು ನಿಯೋಜಿಸಿದ್ದು ಅದರನುಸಾರ ಇವರನ್ನು ತಕ್ಷಣದಿಂದ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆಗೆ ಕರ್ನಾಟಕ ಜೀವಿ ವೈವಿಧ್ಯ ಮಂಡಳಿಯಲ್ಲಿನ ಎಕ್ಸಿಕ್ಯೂಟಿವ್ ಆಫೀಸರ್ (ತೋಟಗಾರಿಕೆ) ಹುದ್ದೆಗೆ ಮರುಸ್ಥಳ ನಿಯುಕ್ತಿಗೊಳಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 280

**ವಿ.ಆರ್. ಗಾಯ್ಕವಾಡ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಅರಣ್ಯ, ಪರಿಸರ ಮತ್ತು ಜೀವಿಶಾಸ್ತ್ರ ಇಲಾಖೆ.

**ಕೃಷಿ ಮತ್ತು ತೋಟಗಾರಿಕೆ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಕೃತೋಇ 7 ಕೃಇಮಂ 2004, ಬೆಂಗಳೂರು, ದಿನಾಂಕ: 10ನೇ ಮಾರ್ಚ್ 2004**

ಕರ್ನಾಟಕ ರಾಜ್ಯ ಕೃಷಿ ಉತ್ಪನ್ನಗಳ ಸಂಸ್ಕರಣೆ ಮತ್ತು ರಫ್ತು ನಿಗಮ ನಿಯಮಿತದ ಅಂತರ ನಿಯಮಾವಳಿ (ಆರ್ಟಿಕಲ್ಸ್ ಆಫ್ ಅಸೋಸಿಯೇಷನ್) ಅನುಚ್ಛೇದ 14(1) ರಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಸರ್ಕಾರವು ಶ್ರೀಮತಿ ಎಲ್. ಶಾಂತಕುಮಾರಿ, ಐ.ಎ.ಎಸ್., ಸರ್ಕಾರದ ಪ್ರಧಾನ ಕಾರ್ಯದರ್ಶಿ (ಆಹಾರ ಸಂಸ್ಕರಣೆ ಮತ್ತು ಕಟಾವು ತಂತ್ರಜ್ಞಾನ), ಕೃಷಿ ಮತ್ತು ತೋಟಗಾರಿಕೆ ಇಲಾಖೆ ಇವರನ್ನು ಶ್ರೀಮತಿ ರಂಜನಿ ಶ್ರೀಕುಮಾರ್, ಐ.ಎ.ಎಸ್. ಇವರ ಬದಲಿಗೆ ತಕ್ಷಣದಿಂದಲೇ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ಕರ್ನಾಟಕ ರಾಜ್ಯ ಕೃಷಿ ಉತ್ಪನ್ನಗಳ ಸಂಸ್ಕರಣೆ ಮತ್ತು ರಫ್ತು ನಿಗಮ ನಿಯಮಿತದ ನಿರ್ದೇಶಕರ ಮಂಡಳಿಯ ನಿರ್ದೇಶಕರನ್ನಾಗಿ ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 281

**ಎಂ.ಎಸ್. ದೇಸಾಯಿ**

ಸರ್ಕಾರದ ಅಧೀನ ಕಾರ್ಯದರ್ಶಿ,

ಕೃಷಿ ಮತ್ತು ತೋಟಗಾರಿಕೆ ಇಲಾಖೆ.

**ಅಧಿಸೂಚನೆ**

**ಸಂಖ್ಯೆ: ಕೃತೋಇ 7 ಕೃಇಮಂ 2004, ಬೆಂಗಳೂರು, ದಿನಾಂಕ: 10ನೇ ಮಾರ್ಚ್ 2004**

ಕರ್ನಾಟಕ ರಾಜ್ಯ ಆಗ್ರೋ ಕಾರನ್ ಪ್ರಾಡಕ್ಟ್ ಲಿಮಿಟೆಡ್‌ನ ಅಂತರ ನಿಯಮಾವಳಿ (ಆರ್ಟಿಕಲ್ಸ್ ಆಫ್ ಅಸೋಸಿಯೇಷನ್) ಅನುಚ್ಛೇದ 5ಬಿ (ii) ರಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಸರ್ಕಾರವು ಶ್ರೀಮತಿ ಎಲ್. ಶಾಂತಕುಮಾರಿ, ಐ.ಎ.ಎಸ್., ಸರ್ಕಾರದ ಪ್ರಧಾನ ಕಾರ್ಯದರ್ಶಿ (ಆಹಾರ ಸಂಸ್ಕರಣೆ ಮತ್ತು ಕಟಾವು ತಂತ್ರಜ್ಞಾನ), ಕೃಷಿ ಮತ್ತು ತೋಟಗಾರಿಕೆ ಇಲಾಖೆ ಇವರನ್ನು ಶ್ರೀಮತಿ ರಂಜನಿ ಶ್ರೀಕುಮಾರ್, ಐ.ಎ.ಎಸ್. ಸರ್ಕಾರದ ಪ್ರಧಾನ ಕಾರ್ಯದರ್ಶಿ, ಇವರ ಬದಲಿಗೆ ತಕ್ಷಣದಿಂದಲೇ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ಕರ್ನಾಟಕ ಸ್ಟೇಟ್ ಆಗ್ರೋ ಕಾರನ್ ಪ್ರಾಡಕ್ಟ್ ಲಿಮಿಟೆಡ್‌ನ ನಿರ್ದೇಶಕರ ಮಂಡಳಿಯ ನಿರ್ದೇಶಕರನ್ನಾಗಿ ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 282

**ಎಂ.ಎಸ್. ದೇಸಾಯಿ**

ಸರ್ಕಾರದ ಅಧೀನ ಕಾರ್ಯದರ್ಶಿ,

ಕೃಷಿ ಮತ್ತು ತೋಟಗಾರಿಕೆ ಇಲಾಖೆ.

## ಕಾರ್ಮಿಕ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ: ಕಾಇ 127 ಕಾಬಾನಿ 2003, ಬೆಂಗಳೂರು, ದಿನಾಂಕ: 11ನೇ ಮಾರ್ಚ್ 2004**

**ವಿಷಯ:** ಮೆ ಕಾನ್ ಸೆಪ್ಟಾ ಕೇಬಲ್ಸ್ ಲಿಮಿಟೆಡ್ ಈ ಕಾರ್ಖಾನೆಯನ್ನು ಮೆ: ಆರ್.ಪಿ.ಜಿ. ಕೇಬಲ್ಸ್ ಲಿಮಿಟೆಡ್, ಮೈಸೂರು ಈ ಕಾರ್ಖಾನೆಯಲ್ಲಿ ವಿಲೀನಗೊಳಿಸುವ ಬಗ್ಗೆ.

ಮೇಲಿನ ವಿಷಯಕ್ಕೆ ಸಂಬಂಧಿಸಿದಂತೆ, ಈ ಪ್ರಸ್ತಾವನೆಯನ್ನು ಕೂಲಂಕುಷವಾಗಿ ಪರಿಶೀಲಿಸಿ, ಕಾರ್ಖಾನೆಗಳ ಕಾಯ್ದೆ, 1948ರ (ಕೇಂದ್ರ ಕಾಯ್ದೆ 1948) ಕಲಂ 4 ರಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಕರ್ನಾಟಕ ಸರ್ಕಾರವು ಮೆ: ಆರ್.ಪಿ.ಜಿ. ಕೇಬಲ್ಸ್ ಲಿಮಿಟೆಡ್, ನಂ. 349, ಹೆಬ್ಬಾಳ ಇಂಡಸ್ಟ್ರೀಯಲ್ ಏರಿಯಾ, ಮೈಸೂರು (ಎಂವೈಬಿ-980) ಈ ಕಾರ್ಖಾನೆಯೊಂದಿಗೆ ಮೆ: ಕಾನ್ ಸೆಪ್ಟಾ ಕೇಬಲ್ಸ್ ಲಿಮಿಟೆಡ್, ನಂ. 270, ಹೆಬ್ಬಾಳ ಇಂಡಸ್ಟ್ರೀಯಲ್ ಏರಿಯಾ, ಮೈಸೂರು (ಎಂವೈಬಿ-1347) ಕಾರ್ಖಾನೆಯನ್ನು ವಿಲೀನಗೊಳಿಸಿ 2004 ರಿಂದ ಜಾರಿಗೆ ಬರುವಂತೆ ಅನುಮತಿ ನೀಡಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 283

**ಬಿ.ಹೆಚ್. ಉಮಾಪತಿ**

ಸರ್ಕಾರದ ಅಧೀನ ಕಾರ್ಯದರ್ಶಿ,

ಕಾರ್ಮಿಕ ಇಲಾಖೆ. (ಕಾರ್ಖಾನೆ ಮತ್ತು ಬಾಯ್ಲರುಗಳು)

## ನಗರಾಭಿವೃದ್ಧಿ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ: ನಅಇ 26 ಗುಅಪ್ರಾ 2004, ಬೆಂಗಳೂರು, ದಿನಾಂಕ: 12ನೇ ಮಾರ್ಚ್ 2004**

ಅಧಿಸೂಚನೆ ಸಂ. ನಅಇ 6 ಗುಅಪ್ರಾ 2001, ದಿನಾಂಕ: 2.3.2001 ರಲ್ಲಿ ಬಸವ ಕಲ್ಯಾಣ ನಗರ ಯೋಜನಾ ಪ್ರಾಧಿಕಾರಕ್ಕೆ ಶ್ರೀ ಮೀರ್‌ವಾರಿಸ್ ಅಲಿ ಇವರನ್ನು ಅಧ್ಯಕ್ಷರು ಹಾಗೂ ಇತರೆ ಸದಸ್ಯರುಗಳನ್ನು ನೇಮಕ ಮಾಡಲಾಗಿತ್ತು. ಸದರಿಯವರ ಅವಧಿ ಮುಕ್ತಾಯಗೊಂಡಿರುವುದರಿಂದ, ಉಪ ವಿಭಾಗಾಧಿಕಾರಿ, ಬಸವಕಲ್ಯಾಣ ಇವರನ್ನು ಬಸವ ಕಲ್ಯಾಣ ನಗರ ಯೋಜನಾ ಪ್ರಾಧಿಕಾರಕ್ಕೆ ಅಧ್ಯಕ್ಷರನ್ನಾಗಿ ತಕ್ಷಣದಿಂದ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆಗೆ ನೇಮಕ ಮಾಡಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 284

**ವಿ. ಶ್ರೀಧರಮೂರ್ತಿ**

ಸರ್ಕಾರದ ಅಧೀನ ಕಾರ್ಯದರ್ಶಿ, ನಗರಾಭಿವೃದ್ಧಿ ಇಲಾಖೆ.

## ಕಂದಾಯ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ: ಕಂಇ 53 ಎಲ್‌ಆರ್‌ಎ 2000 (ಭಾಗ 3), ಬೆಂಗಳೂರು, ದಿನಾಂಕ: 23ನೇ ಫೆಬ್ರವರಿ 2004**

ಕರ್ನಾಟಕ ಭೂ ಸುಧಾರಣೆ ಕಾಯ್ದೆ, 1961 (1962ರ 10ನೇ ಸಂಖ್ಯೆಯ ಕರ್ನಾಟಕ ಕಾಯ್ದೆ ತಿದ್ದುಪಡಿಯಾದಂತೆ) ಕಲಂ 48ರ ಉಪ ಕಲಂ 1 ರಿಂದ 3 ರಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಚಿಕ್ಕಮಗಳೂರು ಜಿಲ್ಲೆಯ ಮೂಡಿಗೆರೆ ತಾಲ್ಲೂಕು ಭೂ ನ್ಯಾಯ ಮಂಡಳಿಗೆ ಈ ಹಿಂದೆ ಅಧಿಸೂಚನೆ ಸಂಖ್ಯೆ: ಆರ್‌ಡಿ 53 ಎಲ್‌ಆರ್‌ಎ 2000, ದಿನಾಂಕ: 14.11.2000 ಅಧಿಸೂಚನೆಯಲ್ಲಿ ಮಾಡಿದ್ದ ನಾಮ ನಿರ್ದೇಶನವನ್ನು ತಕ್ಷಣದಿಂದ ಜಾರಿಗೆ ಬರುವಂತೆ ರದ್ದುಪಡಿಸಿ, ಅವರ ಬದಲಿಗೆ (1) ಶ್ರೀ ಕೆ.ಬಿ. ಮಂಜುನಾಥ್ ಬಿನ್ ಬೈರಯ್ಯ, (ಪರಿಶಿಷ್ಟ ಜಾತಿ) ಮೂಡಿಗೆರೆ ತಾಲ್ಲೂಕು, ಚಿಕ್ಕಮಗಳೂರು ಜಿಲ್ಲೆ, (2) ಶ್ರೀ ಎಂ.ಯು. ಚನ್ನಕೇಶವಗೌಡ ಬಿನ್ ಎಂ.ಸಿ. ವೀರಪ್ಪಗೌಡ, ಮೂಡಿಗೆರೆ ತಾಲ್ಲೂಕು, ಚಿಕ್ಕಮಗಳೂರು ಜಿಲ್ಲೆ (3) ಶ್ರೀ ಅಬ್ದುಲ್ ಮಜೀದ್ ಬಿನ್ ಅಜೀಜ್‌ಸಾಬ್, ಬಿದರಹಳ್ಳಿ, ಮೂಡಿಗೆರೆ ತಾಲ್ಲೂಕು ಚಿಕ್ಕಮಗಳೂರು ಜಿಲ್ಲೆ ಮತ್ತು (4) ಶ್ರೀಮತಿ ಸುಜಾತ ಕೋಂ ಮುದ್ದಪ್ಪ ಜವಳಿ, ಮೂಡಿಗೆರೆ ತಾಲ್ಲೂಕು, ಚಿಕ್ಕಮಗಳೂರು ಜಿಲ್ಲೆ, ಇವರುಗಳನ್ನು ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ನಾಮ ನಿರ್ದೇಶನ ಮಾಡಿ ಸದರಿ ಭೂ ನ್ಯಾಯ ಮಂಡಳಿಯನ್ನು ಪುನರ್ ರಚಿಸಿ ಆದೇಶ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 285

**ವಿ. ರಾಧಾಕೃಷ್ಣ**

ಸರ್ಕಾರದ ಅಧೀನ ಕಾರ್ಯದರ್ಶಿ, ಕಂದಾಯ ಇಲಾಖೆ (ಭೂಸು)

## ಒಳಾಡಳಿತ ಮತ್ತು ಸಾರಿಗೆ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ: ಒಇ 180 ಪೊಸಿಪ 2003, ಬೆಂಗಳೂರು, ದಿನಾಂಕ: 1ನೇ ಜನವರಿ 2004**

ಶ್ರೀ ಹೆಚ್.ಆರ್. ಭಗವಾನ್‌ದಾಸ್ ಇವರಿಗೆ ಎಸ್.ಪಿ (ನಾನ್ ಐಪಿಎಸ್) ಹುದ್ದೆಗೆ ಪದೋನ್ನತಿ ನೀಡಿ ಪದವೃಂದವಿಲ್ಲದ (ಎಕ್ಸ್ ಕೇಡರ್) ಹುದ್ದೆಗೆ ನೇಮಕ ಮಾಡಿರುವುದನ್ನು ಕೆ.ಸಿ.ಎಸ್.ಆರ್. ನಿಯಮ 60ರ ಅಡಿಯಲ್ಲಿ 20.6.2002 ರಿಂದ ಜಾರಿಗೆ ಬರುವಂತೆ ಕ್ರಮಬದ್ಧಗೊಳಿಸಲಾಗಿದೆ. ಈ ದಿನಾಂಕವು ಸದರಿ ಅಧಿಕಾರಿಯವರ ತಕ್ಷಣ ಕಿರಿಯ ಅಧಿಕಾರಿಯಾದಂತಹ ಶ್ರೀ ಎಂ.ಟಿ. ನಾಯಕ್ ರವರು ಕರ್ತವ್ಯಕ್ಕೆ ಹಾಜರಾದ ದಿನಾಂಕವಾಗಿರುತ್ತದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 287

**ಆರ್. ರಂಗಮಣಿ**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಮತ್ತು ಸಾರಿಗೆ ಇಲಾಖೆ (ಪೊಲೀಸ್ ಸೇವೆಗಳು)